ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 16ನೇ ಮಾರ್ಚ್, 2020

ಸರ್ಕಾರಿ ಪದವಿ ಪೂರ್ವ ಕಾಲೇಜು ಉಪನ್ಯಾಸಕರ ನೇಮಕಾತಿ ಕುರಿತು ಮಾಹಿತಿ

ಶ್ರೀ ಕೆ. ಹರೀಶ್‌ಕುಮಾರ್ (ವಿಧಾನಸಭೆಯಿಂದ ಚುನಾಯಿತರಾದವರು)

139 (1202) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಕರ್ನಾಟಕ ಪರೀಕ್ಷಾ ಪ್ರಾಧಿಕಾರವು (ಕೆ.ಇ.ಎ.) 2015ರಲ್ಲಿ 1203 ಪದವಿಪೂರ್ವ ಕಾಲೇಜುಗಳ ಉಪನ್ಯಾಸಕರ ಹುದ್ದೆಗೆ ಅಧಿಸೂಚನೆ ಹೊರಡಿಸಿದ್ದು, ಸ್ಪರ್ಧಾತ್ಮಕ ಪರೀಕ್ಷೆ ನಡೆಸಿ ದಿನಾಂಕ: 15.10.2019ರಂದು ಅಂತಿಮ ಆಯ್ಕೆ ಪಟ್ಟಿಯನ್ನು ಪ್ರಕಟಿಸಿರುವುದಲ್ಲದೆ, ಪೊಲೀಸ್ ವೈದ್ಯಕೀಯ, ಸಿಂಧುತ್ವ, ಅಂಕಪಟ್ಟಿ ನೈಜತೆ ಪರಿಶೀಲನೆಯ ಪ್ರಕ್ರಿಯೆಗಳು ಪೂರ್ಣಗೊಂಡು 5 ವರ್ಷ ಕಳೆದರೂ ನೇಮಕಾತಿ ಆದೇಶ ನೀಡದೆ ವಿಳಂಬ ಧೋರಣೆ ನಡೆಸಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಸರ್ಕಾರ ಈ ಬಗ್ಗೆ ಕೈಗೊಂಡ ಕ್ರಮಗಳೇನು ; ಯಾವ ಕಾಲಮಿತಿಯಲ್ಲಿ ನೊಂದ ಅಭ್ಯರ್ಥಿಗಳಿಗೆ ನ್ಯಾಯ ಸಿಗಲಿದೆ ? (ಸಂಪೂರ್ಣ ಮಾಹಿತಿ ನೀಡುವುದು)